ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಗುರುವಾರ, ದಿನಾಂಕ: 4ನೇ ಫೆಬ್ರುವರಿ, 2021

ಬೆಂಗಳೂರು ನಗರದಲ್ಲಿ ಸಂಚಾರ ದಟ್ಟಣೆ (ಟ್ರಾಫಿಕ್) ಕಡಿಮೆಗೊಳಿಸುವ ಕುರಿತು

ಶ್ರೀ ಪಿ.ಆರ್.ರಮೇಶ್ (ನಾಮನಿರ್ದೇಶನ) :-

382 (441) ಮಾನ್ಯ ಗೃಹ ಮತ್ತು ಕಾನೂನು, ಸಂಸದೀಯ ವ್ಯವಹಾರಗಳು ಹಾಗೂ ಶಾಸನ ರಚನೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬೆಂಗಳೂರು ನಗರವು ಟ್ರಾಫಿಕ್ ಸಂಚಾರ (ಸಂಚಾರ ದಟ್ಟಣೆಯ ಪ್ರಮಾಣದ) ವಿಷಯದಲ್ಲಿ ದೇಶದ 2ನೇ ನಗರವೆಂದು ಖಾಸಗಿ ಸಂಸ್ಥೆಯವರು ನಡೆಸಿದ ಸಮೀಕ್ಷೆಯ ವರದಿ ವಿಷಯವು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರದ ನಿಲುವೇನು;

(ಆ) ಸರ್ಕಾರಿ/ಖಾಸಗಿ ಬಸ್ಸುಗಳ ಚಾಲಕರು ನಿರ್ದಿಷ್ಟವಾದ ಜಾಗದಲ್ಲಿ ತಮ್ಮ ವಾಹನಗಳನ್ನು ನಿಲುಗಡೆ ಮಾಡದೇ ರಸ್ತೆಯಲ್ಲಿ ಅಡ್ಡಾದಿಡ್ಡಿ ನಿಲುಗಡೆ ಮಾಡಿ ರಸ್ತೆ ಸಂಚಾರದ ನಿಯಮವನ್ನು ಉಲ್ಲಂಘಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರದ ಕ್ರಮವೇನು; (ಚಾಲ್ತಿಯಲ್ಲಿರುವ ಮಾನದಂಡಗಳ ಕುರಿತು ವಿವರ ನೀಡುವುದು)

(ಇ) Peak hoursಅಂದರೆ ಬೆಳಿಗ್ಗೆ 9 ಘಂಟೆಯಿಂದ 11 ಘಂಟೆಯ ಅವಧಿಗೆ ಬೆಂಗಳೂರು ನಗರದ ಪ್ರಮುಖ ರಸ್ತೆಗಳಲ್ಲಿ ನಿಧಾನಗತಿಯಲ್ಲಿ ಚಲಿಸುವ ಮತ್ತು ಗೂಡ್ಸ್ ವಾಹನಗಳ ಸಂಚಾರಕ್ಕೆ ನಿರ್ಬಂಧ ವಿಧಿಸುವ ಹಾಗೂ ನಗರದ ಸಂಚಾರ ದಟ್ಟಣೆಯನ್ನು ಕಡಿಮೆ ಮಾಡುವ ಕುರಿತು ಸರ್ಕಾರ ಚಿಂತನೆ ನಡೆಸಿದೆಯೇ; (ವಿವರ ನೀಡುವುದು)

(ಈ) ಸದರಿ ಸಮಯದಲ್ಲಿ ಅನ್ಯ ಜಿಲ್ಲೆ/ಅನ್ಯ ರಾಜ್ಯಗಳಿಂದ ಬೆಂಗಳೂರು ನಗರಕ್ಕೆ ಬರುವ ಎಲ್ಲಾ ರೀತಿಯ ವಾಹನಗಳನ್ನು ಬೆಂಗಳೂರು ನಗರದ ಹೊರವಲಯದಲ್ಲಿ ನಿಲ್ಲಿಸಿ ನಗರದ ಸಂಚಾರ ದಟ್ಟಣೆಯನ್ನು ಕಡಿಮೆ ಮಾಡುವ ವಿಷಯದ ಕುರಿತು ಸರ್ಕಾರ ಚಿಂತನೆ ನಡೆಸಿದೆಯೇ? (ವಿವರ ನೀಡುವುದು)